ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಮಂಗಳವಾರ, ದಿನಾಂಕ : 10 ನೇ ಮಾರ್ಚ್, 2020

ತೋಟಗಾರಿಕೆ ವಿಶ್ವವಿದ್ಯಾಲಯದಲ್ಲಿ ಖಾಲಿ ಇರುವ ಹುದ್ದೆಗಳ ಬಗ್ಗೆ

ಶ್ರೀ ಎನ್. ಅಪ್ಪಾಜಿಗೌಡ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

477 (771) ಮಾನ್ಯ ಪೌರಾಡಳಿತ ಹಾಗೂ ತೋಟಗಾರಿಕೆ ಮತ್ತು ರೇಷ್ಮೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕಳೆದ 2 ವರ್ಷಗಳಿಂದ ತೋಟಗಾರಿಕೆ ವಿಶ್ವವಿದ್ಯಾಲಯದ ಕುಲಪತಿಗಳ ಹುದ್ದೆ ಖಾಲಿ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಕೈಗೊಂಡ ಕ್ರಮಗಳೇನು;

(ಆ) ಸದರಿ ಹುದ್ದೆ ಖಾಲಿ ಇರುವುದರಿಂದ ಆಡಳಿತ ಮತ್ತು ಸಂಶೋಧನೆಗೆ ಹಿನ್ನಡೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಕೈಗೊಂಡ ಕ್ರಮಗಳೇನು;

(ಇ) ತೋಟಗಾರಿಕೆ ವಿಶ್ವವಿದ್ಯಾಲಯದಲ್ಲಿ ಪ್ರಾಧ್ಯಾಪಕರು, ಸಹ ಪ್ರಾಧ್ಯಾಪಕರು, ಸಹಾಯಕ ಪ್ರಾಧ್ಯಾಪಕರು ಮತ್ತು ಬೋಧಕೇತರ ಹುದ್ದೆಗಳು ಎಷ್ಟು ಖಾಲಿ ಇವೆ; ಈ ಹುದ್ದೆಗಳು ಎಷ್ಟು ವರ್ಷಗಳಿಂದ ಖಾಲಿ ಇವೆ; ಸದರಿ ಹುದ್ದೆಗಳನ್ನು ಭರ್ತಿ ಮಾಡಲು ಸರ್ಕಾರ ಕೈಗೊಂಡ ಕ್ರಮಗಳೇನು?